ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಬುಧವಾರ, ದಿನಾಂಕ: 09ನೇ ಡಿಸೆಂಬರ್, 2020

ಕೊಡಗು ಜಿಲ್ಲೆಯಲ್ಲಿ ಆದಿವಾಸಿ ಅರಣ್ಯ ಹಕ್ಕು ಕಾಯ್ದೆಯಡಿ ಭೂಮಿ ಮಂಜೂರು ಕುರಿತು

ಶ್ರೀಮತಿ ಎಸ್.ವೀಣಾ ಅಚ್ಚಯ್ಯ (ವಿಧಾನಸಭೆಯಿಂದ ಚುನಾಯಿತರಾದವರು):-

245 (291) ಮಾನ್ಯ ಕಂದಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕೊಡಗು ಜಿಲ್ಲೆಯಲ್ಲಿ ಆದಿವಾಸಿ ಅರಣ್ಯ ಹಕ್ಕು ಕಾಯ್ದೆಯಡಿ ಎಷ್ಟು ಗಿರಿಜನ ಫಲಾನುಭವಿಗಳಿಗೆ ಭೂಮಿಯನ್ನು ಮಂಜೂರು ಮಾಡಲಾಗಿದೆ;

(ಆ) ಜಿಲ್ಲೆಯಲ್ಲಿ ಇದುವರೆಗೂ ಆದಿವಾಸಿ ಅರಣ್ಯ ಹಕ್ಕು ಕಾಯ್ದೆಯಡಿ ಭೂಮಿಯನ್ನು ಮಂಜೂರು ಮಾಡುವಂತೆ ಕೋರಿ ಬಂದಿರುವ ಅರ್ಜಿಗಳು ಎಷ್ಟು;

(ಇ) ಸದರಿ ಅರ್ಜಿಗಳಲ್ಲಿ ಇದುವರೆಗೂ ವಿಲೇವಾರಿಯಾಗದೆ ಉಳಿದಿರುವ ಅರ್ಜಿಗಳೆಷ್ಟು;

(ಈ) ಜಿಲ್ಲೆಗಳಲ್ಲಿ ಆದಿವಾಸಿ ಅರಣ್ಯ ಹಕ್ಕು ಕಾಯ್ದೆಯಡಿ ಭೂಮಿ ಹಂಚಿಕೆ ಮಾಡುವಲ್ಲಿ ಅನಗತ್ಯ ವಿಳಂಬವಾಗುತ್ತಿರುವುದಕ್ಕೆ ಕಾರಣಗಳೇನು?